ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಮಂಗಳವಾರ, ದಿನಾಂಕ: 22ನೇ ಸೆಪ್ಟಂಬರ್, 2020

ನಾಗಮಂಗಲ ಪಟ್ಟಣ ಪಂಚಾಯಿತಿಯನ್ನು ಪುರಸಭೆಯಾಗಿ ಮೇಲ್ದರ್ಜೆಗೇರಿಸುವ ಕುರಿತು

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

152 (271) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ನಾಗಮಂಗಲ ಪಟ್ಟಣ ಪಂಚಾಯಿತಿ ಇತ್ತೀಚೆಗೆ ಪುರಸಭೆಯಾಗಿ ಮೇಲ್ದರ್ಜೆಗೆ ಏರಿರುವುದರಿಂದ ಪುರಸಭೆ ವ್ಯಾಪ್ತಿಗೆ ಒಳಪಡುವ ಪ್ರದೇಶ ವಿಸ್ತಾರವಾಗಿರುವುದರಿಂದ ಪುರಸಭೆ ವ್ಯಾಪ್ತಿಗೆ ಅಗತ್ಯ ಮೂಲ ಸೌಕರ್ಯಗಳಾದ ಯು.ಜಿ.ಡಿ. ರಸ್ತೆ. ಕುಡಿಯುವ ನೀರಿನ ಸೌಲಭ್ಯ ಒದಗಿಸುವ ಯೋಜನೆ ಸರ್ಕಾರದ ಮುಂದೆ ಇದೆಯೇ; (ಇದ್ದಲ್ಲಿ, ಈ ಯೋಜನೆಯ ವಿವರವಾದ ಮಾಹಿತಿ ನೀಡುವುದು)

(ಆ) ಈ ಯೋಜನೆಯನ್ನು ಅನುಷ್ಠಾನಗೊಳಿಸಲಾಗುವುದು ಯಾವಾಗ;

(ಇ) ಯಾವುದೇ ಯೋಜನೆ ಇಲ್ಲವಾದಲ್ಲಿ ಈ ಪುರಸಭೆ ವ್ಯಾಪ್ತಿಯ ಜನರಿಗೆ ಅಗತ್ಯ ಮೂಲ ಸೌಲಭ್ಯ ನೀಡುವಲ್ಲಿ ಸರ್ಕಾರದ ಮುಂದಿನ ಕ್ರಮಗಳೇನು ;

(ಈ) ನಾಗಮಂಗಲ ತಾಲ್ಲೂಕಿನ ಬೆಳ್ಳೂರು ಗ್ರಾಮ ಪಂಚಾಯಿತಿಯನ್ನು ಪಟ್ಟಣ ಪಂಚಾಯಿತಿಯಾಗಿ ಮೇಲ್ದರ್ಜೆಗೇರಿಸಿರುವುದರಿಂದ ಈ ಪಟ್ಟಣ ಪಂಚಾಯಿತಿಗೆ ಅಗತ್ಯ ಮೂಲ ಸೌಲಭ್ಯ ವಿಸ್ತರಿಸುವುದಕ್ಕೆ ಯೋಜನೆ ರೂಪಿಸಲಾಗಿದೆಯೇ ? (ಯೋಜನೆಯ ಸಂಪೂರ್ಣ ವಿವರ ನೀಡುವುದು)